ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 16ನೇ ಮಾರ್ಚ್, 2020

ಅನುದಾನಿತ ಶಾಲಾ ಕಾಲೇಜುಗಳಲ್ಲಿ ಖಾಲಿ ಹುದ್ದೆ ಭರ್ತಿ ಕುರಿತು

ಶ್ರೀ ಅರುಣ ಶಹಾಪುರ (ಶಿಕ್ಷಕರ ಕ್ಷೇತ್ರ) :-

934 (1177) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಮತ್ತು ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಅನುದಾನಿತ ಪ್ರಾಥಮಿಕ ಮತ್ತು ಪ್ರೌಢ ಹಾಗೂ ಪದವಿ ಪೂರ್ವ ಕಾಲೇಜುಗಳಲ್ಲಿ ಯಾವ ವರ್ಷದವರೆಗೆ ಖಾಲಿ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು ಅವಕಾಶ ಕಲ್ಪಿಸಲಾಗಿದೆ ; (ಪ್ರತಿಯೊಂದರ ಆದೇಶದ ಪ್ರತಿ ನೀಡುವುದು)

(ಆ) ಯಾವ ವರ್ಷದವರೆಗೆ ಖಾಲಿಯಾಗಿರುವ ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು ಅವಕಾಶ ಒದಗಿಸಿ ಆದೇಶ ಹೊರಡಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ ; (ಸಂಪೂರ್ಣ ವಿವರ ನೀಡುವುದು)

(ಇ) ಹುದ್ದೆಗಳನ್ನು ಭರ್ತಿ ಮಾಡಿಕೊಳ್ಳಲು ಸರ್ಕಾರ ವಿಧಿಸಿರುವ ಷರತ್ತುಗಳು ಹಾಗೂ ಅದಕ್ಕಿರುವ ನಿಯಮಾವಳಿಗಳೇನು ;

(ಈ) ಈ ನಿಯಮಾವಳಿಗಳ ಕಾರಣಕ್ಕಾಗಿ ಹುದ್ದೆ ಖಾಲಿ ಇದ್ದರೂ ಕೂಡ ಭರ್ತಿ ಮಾಡಿಕೊಳ್ಳಲು ಅನುಮತಿ ನೀಡಲಾಗುತ್ತಿಲ್ಲ ;ಇದ್ದಲ್ಲಿ, ಅಲ್ಲಿ ವಿದ್ಯಾಭ್ಯಾಸ ಮಾಡುತ್ತಿರುವ ವಿದ್ಯಾರ್ಥಿಗಳಿಗೆ ಸಮಸ್ಯೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿಲ್ಲವೆ ;

(ಉ) ಈ ನಿಯಮಾವಳಿಗಳ ಸಡಿಲಿಕೆಗೆ ಸರ್ಕಾರ ತೆಗೆದುಕೊಳ್ಳುವ ಕ್ರಮವೇನು?